ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಗ್ರಾಮ ಪಂಚಾಯತಿಗಳಲ್ಲಿ ಕಸ ವಿಲೇ ಮಾಡಲು ಜಾಗ ಇಲ್ಲದಿರುವ ಬಗ್ಗೆ

ಶ್ರೀ ಸುನೀಲ್ ಸುಬ್ರಮಣಿ ಎಂ. ಪಿ. (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

347 (354) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ಎಲ್ಲಾ ಗ್ರಾಮ ಪಂಚಾಯತಿಗಳಲ್ಲಿ ಕಸ ವಿಲೇವಾರಿಗೆ ಜಾಗ ಮೀಸಲಿಡಲಾಗಿದೆಯೇ ;

(ಆ) ರಾಜ್ಯದ ಯಾವ ಯಾವ ಗ್ರಾಮ ಪಂಚಾಯತಿಗಳಲ್ಲಿ ಕಸ ವಿಲೇವಾರಿಗೆ ಜಾಗ ಇರುವುದಿಲ್ಲ ; (ಮಾಹಿತಿ ನೀಡುವುದು)

(ಇ) ಈಗಾಗಲೇ ಕಸ ವಿಲೇವಾರಿಗೆ ಮಂಜೂರಾಗಿರುವ ಜಾಗವನ್ನು ಒತ್ತುವರಿ ಮಾಡಿಕೊಂಡಿರುವ ಬಗ್ಗೆ ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಯಾವ ಗ್ರಾಮ ಪಂಚಾಯತಿಗಳಲ್ಲಿ ಕಸ ವಿಲೇವಾರಿಗೆ ಮೀಸಲಿಟ್ಟ ಜಾಗವನ್ನು ಒತ್ತುವರಿ ಮಾಡಲಾಗಿದೆ; ಈ ಪ್ರಕರಣಗಳ ಸಂಖ್ಯೆ ಎಷ್ಟು ; (ವಿವರ ನೀಡುವುದು)

(ಈ) ಈ ಬಗ್ಗೆ ಸರ್ಕಾರ ಗ್ರಾಮ ಪಂಚಾಯತಿಗಳಿಗೆ ಯಾವ ಆದೇಶ ಜಾರಿಗೊಳಿಸಿದೆ ?